


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1311(1547)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ. ಎ. ಗೋಪಾಲಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ಎನ್. ಪಿ. ಎಸ್. ಯೋಜನೆಯ ಸಾಧಕ-ಬಾಧಕಗಳ ಬಗ್ಗೆ

(ಅ) ರಾಜ್ಯ ಸರ್ಕಾರಿ ನೌಕರರು ಎನ್.ಪಿ.ಎಸ್. ಯೋಜನೆಯನ್ನು ಕೈಬಿಟ್ಟು ಹಳೆ ಪಿಂಚಣಿ ವ್ಯವಸ್ಥೆ ಜಾರಿ ಮಾಡುವಂತೆ ನಡೆಸಿರುವ ಪ್ರತಿಭಟನೆಗಳು ಮತ್ತು ಸದರಿ ನೌಕರ ಸಂಘಗಳು ಮಾಡಿರುವ ಮನವಿಗಳು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಬಗ್ಗೆ ಸರ್ಕಾರವು ವಹಿಸಿರುವ ಕ್ರಮಗಳೇನು;

(ಆ) ಹಳೆ ಪಿಂಚಣಿ ವ್ಯವಸ್ಥೆ ಸಾಧಕ-ಬಾಧಕಗಳ ಬಗ್ಗೆ ಪರಿಶೀಲನೆ ಮಾಡಲು ರಚಿಸಿರುವ ಅಧಿಕಾರಿಗಳ ಸಮಿತಿಯು ಇಲ್ಲಿಯವರೆಗೆ ಎಷ್ಟು ಸಭೆಗಳನ್ನು ನಡೆಸಿದೆ, ಈ ಸಮಿತಿ ಸಲ್ಲಿಸಿರುವ ಅಧ್ಯಯನ ವರದಿಯ ವಿವರಗಳೇನು; ಈ ವರದಿಯ ಮೇಲೆ ಸರ್ಕಾರ ಕೈಗೊಂಡಿರುವ ಕ್ರಮಗಳ ಬಗ್ಗೆ ಮಾಹಿತಿ ನೀಡುವುದು;

(ಇ) ಎನ್.ಪಿ.ಎಸ್ ಯೋಜನೆ ಜಾರಿ ಮಾಡಿದ್ದಲ್ಲಿ ಸರ್ಕಾರಕ್ಕೆ ಆಗಬಹುದಾದ ಲಾಭ-ನಷ್ಟಗಳ ಬಗ್ಗೆ ಪರಿಶೀಲನೆ ನಡೆಸಲಾಗಿದೆಯೇ; ನಡೆಸಿದ್ದಲ್ಲಿ ಲಾಭ-ನಷ್ಟಗಳ ವಿವರ ನೀಡುವುದು;

(ಈ) ಎನ್.ಪಿ.ಎಸ್ ಯೋಜನೆ ಅಥವಾ ಹಳೆ ಪಿಂಚಣಿ ವ್ಯವಸ್ಥೆಯನ್ನು ಆಯ್ಕೆ ಮಾಡಿಕೊಳ್ಳುವ ಸಂಬಂಧ ರಾಜ್ಯ ಸರ್ಕಾರಿ ನೌಕರರಿಗೆ one time measurement ಆಯ್ಕೆ ಮಾಡಿಕೊಳ್ಳುವ ವಿಚಾರವಾಗಿ ಸರ್ಕಾರದ ನಿಲುವೇನು;

(ಉ) ರಾಜ್ಯದಲ್ಲಿ ಎಷ್ಟು ಸರ್ಕಾರಿ ನೌಕರರು ಎನ್.ಪಿ.ಎಸ್ ಯೋಜನೆಗೆ ಒಳಪಡುತ್ತಾರೆ; ರಾಜ್ಯ ಸರ್ಕಾರಿ ನೌಕರರಿಗೆ ಜಾರಿ ಮಾಡಿರುವ ಎನ್.ಪಿ.ಎಸ್ ಯೋಜನೆಯನ್ನು ಹಿಂಪಡೆದು ಹಳೆ ಪಿಂಚಣಿ ವ್ಯವಸ್ಥೆಯನ್ನು ಸರ್ಕಾರಿ ನೌಕರರಿಗೆ ನೀಡಲು ಸರ್ಕಾರಕ್ಕಿರುವ ತೊಂದರೆಗಳೇನು? (ವಿವರ ನೀಡುವುದು)